ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತೊಂದನೆಯ ಅಧಿವೇಶನ

ಸೋಮವಾರ, ದಿನಾಂಕ : 21 ನೇ ಸೆಪ್ಟೆಂಬರ್, 2020

ಕೊರೋನಾ ನಿಯಂತ್ರಿಸಲು ರಾಜ್ಯಾದ್ಯಂತ ನಿಗದಿಪಡಿಸಿರುವ ಕೋವಿಡ್ ಕೇರ್ ಸೆಂಟರ್ ಹಾಗೂ ಆಸ್ಪತ್ರೆಗಳ ವಿವರ

ಶ್ರೀ ಮಾನೆ ಶ್ರೀನಿವಾಸ್(ಸ್ಥಳೀಯ ಸಂಸ್ಥೆಗಳಿಂದ ಚುನಾಯಿತರಾದವರು) –

59 (156) ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಹಾಗೂ ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ –

(ಅ) ಕೊರೋನಾ ರೋಗವನ್ನು ನಿಯಂತ್ರಿಸಲು ರಾಜ್ಯಾದ್ಯಂತ ನಿಗದಿಪಡಿಸಿರುವ ಒಟ್ಟು ಸರ್ಕಾರಿ ಆಸ್ಪತ್ರೆಗಳು, ಖಾಸಗಿ ಆಸ್ಪತ್ರೆಗಳು ಹಾಗೂ ಕೋವಿಡ್ ಕೇರ್ ಕೇಂದ್ರಗಳ ಸಂಖ್ಯೆ ಎಷ್ಟು; (ಜಿಲ್ಲಾವಾರು ಮಾಹಿತಿ ಒದಗಿಸುವುದು)

(ಆ) ರಾಜ್ಯಾದ್ಯಂತ ಕೊರೋನಾ ನಿಯಂತ್ರಣಕ್ಕಾಗಿ ಕರ್ತವ್ಯ ನಿರ್ವಹಿಸುತ್ತಿರುವ ಸರ್ಕಾರಿ ಆಸ್ಪತ್ರೆಗಳು. ಖಾಸಗಿ ಆಸ್ಪತ್ರೆಗಳು ಹಾಗೂ ಕೋವಿಡ್ ಕೇರ್ ಸೆಂಟರ್‌ಗಳಲ್ಲಿ ಲಭ್ಯವಿರುವ ವೆಂಟಿಲೇಟರ್‌ಗಳ ಸಂಖ್ಯೆ ಎಷ್ಟು;

(ಇ) ರಾಜ್ಯಾದ್ಯಂತ ಕೊರೋನಾದಿಂದ ಬಳಲುತ್ತಿರುವ ರೋಗಿಗಳಿಗೆ ಸರಿಯಾದ ಸಮಯದಲ್ಲಿ ವೆಂಟಿಲೇಟರ್‌ಗಳು ಲಭ್ಯವಾಗದ ಕಾರಣ ಪ್ರಾಣ ಕಳೆದುಕೊಂಡಿರುವುದು ಹಾಗೂ ಸಾವಿರಾರು ರೋಗಿಗಳು ವೆಂಟಿಲೇಟರ್‌ಗಳ ಕೊರತೆಯಿಂದ ತೊಂದರೆಗೀಡಾಗಿರುವ ವಿಷಯ ಸರ್ಕಾರದ ಗಮನಕ್ಕೆ ಬಂದಿದೆಯೇ;

(ಈ) ರಾಜ್ಯಾದ್ಯಂತ ವೆಂಟಿಲೇಟರ್‌ಗಳ ಕೊರತೆಗೆ ಕಾರಣಗಳೇನು; ವೆಂಟಿಲೇಟರ್ ಕೊರತೆ ನೀಗಿಸಲು ಸರ್ಕಾರ ಕೈಗೊಂಡ ಕ್ರಮಗಳೇನು?